ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಶುಕ್ರವಾರ, ದಿನಾಂಕ : 06 ನೇ ಮಾರ್ಚ್, 2020

ಗಣಿಬಾಧಿತ ಪ್ರದೇಶಗಳಲ್ಲಿನ ಮಹಿಳೆಯರ ಸಾಮಾಜಿಕ ಹಾಗೂ ಆರ್ಥಿಕ ಭದ್ರತೆ ಕುರಿತು

ಶ್ರೀ ಹೆಚ್. ಎಂ. ರಮೇಶ ಗೌಡ (ವಿಧಾನಸಭೆಯಿಂದ ಚುನಾಯಿತರಾದವರು):-

335 (379) ಮಾನ್ಯ ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ, ವಿಕಲಚೇತನರ ಮತ್ತು ಹಿರಿಯ ನಾಗರಿಕರ ಸಬಲೀಕರಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ತುಮಕೂರು ಜಿಲ್ಲೆಯ ಗಣಿಬಾಧಿತ ಪ್ರದೇಶದ ಗ್ರಾಮೀಣ ಭಾಗಗಳಲ್ಲಿ ಸಾಮಾಜಿಕ ಹಾಗೂ ಆರ್ಥಿಕ ಭದ್ರತೆ ಇಲ್ಲದೆ ಖಿನ್ನತೆಗೆ ಒಳಗಾಗಿ ಮಹಿಳೆಯರ ಆತ್ಮಹತ್ಯೆ ಪ್ರಮಾಣ ಹೆಚ್ಚಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ; ಬಂದಿದ್ದಲ್ಲಿ, ಸರ್ಕಾರ ಕೈಗೊಂಡಿರುವ ಕ್ರಮಗಳೇನು ;

(ಆ) ರಾಜ್ಯದ ಅಭಿವೃದ್ಧಿ ಕಾಣದ ಹಿಂದುಳಿದಿರುವ ಗ್ರಾಮೀಣ ಪ್ರದೇಶಗಳಲ್ಲಿ ಮಹಿಳೆಯರು ಮತ್ತು ಮಕ್ಕಳ ಅಪೌಷ್ಟಿಕತೆ ಹೋಗಲಾಡಿಸಲು ಸರ್ಕಾರ ಯಾವ ಯಾವ ಯೋಜನೆಗಳನ್ನು ರೂಪಿಸಿದೆ ; (ವಿವರ ನೀಡುವುದು)

(ಇ) ರಾಜ್ಯದ ಇನ್ನೂ ಎಷ್ಟು ತಾಲ್ಲೂಕುಗಳಲ್ಲಿ ಮಹಿಳೆಯರ ಸಮಸ್ಯೆಗಳ ಬಗ್ಗೆ ಗಮನ ಹರಿಸುವ ಆಪ್ತ ಸಮಾಲೋಚನಾ ಕೇಂದ್ರ ನಿರ್ಮಾಣವಾಗಬೇಕಿದೆ ; ಈಗಾಗಲೇ ಕಾರ್ಯನಿರ್ವಹಿಸುತ್ತಿರುವ ಆಪ್ತ ಸಮಾಲೋಚನಾ ಕೇಂದ್ರಗಳೆಷ್ಟು? (ಜಿಲ್ಲಾವಾರು ಮಾಹಿತಿ ನೀಡುವುದು)